ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಮಂಗಳವಾರ, ದಿನಾಂಕ : 08 ನೇ ಡಿಸೆಂಬರ್, 2020

ಕೃಷಿ ಉತ್ಪನ್ನ ಮಾರುಕಟ್ಟೆ ಪ್ರಾಂಗಣಗಳಲ್ಲಿ ಅಗತ್ಯ ಮೂಲಭೂತ ಸೌಕರ್ಯಗಳ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

100 (159) ಮಾನ್ಯ ಸಹಕಾರ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಮಂಡ್ಯ ಜಿಲ್ಲೆ ವ್ಯಾಪ್ತಿಯ ಕೃಷಿ ಉತ್ಪನ್ನ ಮಾರುಕಟ್ಟೆ ಪ್ರಾಂಗಣಗಳಲ್ಲಿ ಅಗತ್ಯ ಮೂಲಭೂತ ಸೌಕರ್ಯಗಳನ್ನು ಒದಗಿಸಲು ಸರ್ಕಾರವು ಯಾವ ಕ್ರಿಯಾ ಯೋಜನೆ ರೂಪಿಸಿದೆ ; (ತಾಲ್ಲೂಕುವಾರು ವಿವರವಾದ ಮಾಹಿತಿಯನ್ನು ನೀಡುವುದು)

(ಆ) ಸದರಿ ಕೃಷಿ ಉತ್ಪನ್ನ ಮಾರುಕಟ್ಟೆ ಪ್ರಾಂಗಣದಲ್ಲಿ ಅಗತ್ಯ ಮೂಲಭೂತ ಸೌಕರ್ಯಗಳಿಲ್ಲದೆ ದಿನನಿತ್ಯ ರೈತರು ಮತ್ತು ವರ್ತಕರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇವುಗಳನ್ನು ಸರಿಪಡಿಸಲು ಯಾವ ಕ್ರಮ ಕೈಗೊಳ್ಳಲಾಗಿದೆ ;

(ಇ) ನಾಗಮಂಗಲ ಎ.ಪಿ.ಎಂ.ಸಿ ಯಲ್ಲಿ ಶೌಚಾಲಯ, ವೇ ಬ್ರಿಡ್ಜ್ ಹಾಗೂ ಇತರೆ ಕಾಮಗಾರಿಗಳು ಕಳಪೆ ಗುಣ ಮಟ್ಟದಿಂದ ಕೂಡಿದ್ದು ಇವುಗಳನ್ನು ರೈತರು ಮತ್ತು ವರ್ತಕರು ಬಳಸದಂತಹ ಸ್ಥಿತಿಯಲ್ಲಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕಾಮಗಾರಿ ನಿರ್ವಹಿಸಿದ ಗುತ್ತಿಗೆದಾರರು ಮತ್ತು ಇಲಾಖಾ ಮುಖ್ಯಸ್ಥರ ವಿರುದ್ಧ ಯಾವ ಕ್ರಮ ಕೈಗೊಳ್ಳಲಾಗಿದೆ?